

# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 19-03-2021 ಪ್ರಶ್ನೆ ಸಂಖ್ಯೆ : 1496 (1686)

0ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಘೋಟ್ನೆಕರ ಶ್ರೀಕಾಂತ ಲಕ್ಷ್ಮಣ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾ.ದ ದಿನಾಂಕ : 19-03-2021

ಉತ್ತರಿಸುವ ಸಚಿವರು: ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು

ವಿಷಯ : ಕೆ.ಆರ್.ಐ.ಡಿ.ಎಲ್ ಸೇವೆಯಲ್ಲಿ ಮಾಡಿದ ಕಳಪೆ ಕಾಮಗಾರಿ ಬಗ್ಗೆ

(ಅ) ಕಳೆದ 2 ವರ್ಷಗಳಿಂದ ಕಾರವಾರ ಜಿಲ್ಲೆಯ ವಿವಿಧ ತಾಲ್ಲೂಕುಗಳಲ್ಲಿ ಕೆ.ಆರ್.ಐ.ಡಿ.ಎಲ್ ವತಿಯಿಂದ ಮಂಜೂರು ಆಗಿರುವ ಅನುದಾನದಲ್ಲಿ ಬಹಳಷ್ಟು ಕಡೆ ಕಳಪೆ ಕಾಮಗಾರಿಗಳಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಕಾಮಗಾರಿ ಹಾಗೂ ಗುತ್ತಿಗೆದಾರರ ಹೆಸರಿನೊಂದಿಗೆ ಸಂಪೂರ್ಣ ವಿವರ ನೀಡುವುದು ;

(ಆ) ಕಳೆದ ಎರಡು ವರ್ಷಗಳಿಂದ ರಸ್ತೆ ಅಭಿವೃದ್ಧಿ ಕಾಮಗಾರಿಗಳಿಗೆ ಬಿಡುಗಡೆಯಾದ ಅನುದಾನ ಎಷ್ಟು ; (ವಿವರ ನೀಡುವುದು)

(ಇ) ಕೆ.ಆರ್.ಐ.ಡಿ.ಎಲ್ ವತಿಯಿಂದ ಕಳಪೆ ಕಾಮಗಾರಿಗೆ ಕಾರಣರಾದ ಅಧಿಕಾರಿಗಳ/ಗುತ್ತಿಗೆದಾರರ ಮೇಲೆ ಸೂಕ್ತ ಕ್ರಮ ಕೈಗೊಳ್ಳಲಾಗುವುದೇ ; (ವಿವರ ನೀಡುವುದು)

(ಈ) ಸದರಿ ವಿಷಯದಲ್ಲಿ ಅನೇಕ ಬಾರಿ ದೂರು ನೀಡಿದ್ದರೂ ಸಂಬಂಧಿಸಿದ ಅಧಿಕಾರಿಗಳು ಸರಿಯಾಗಿ ಸ್ಪಂದಿಸದೇ ಇರುವುದು ಸಂಶಯಕ್ಕೆ ಆಸ್ಪದವಾಗಿದ್ದು, ಈ ಬಗ್ಗೆ ಜಿಲ್ಲೆಯಲ್ಲಿ ಆಗಿರುವ ಕಾಮಗಾರಿಗಳನ್ನು ಬೇರೆ ಯಾವುದೇ ವಿಚಕ್ಷಣ ದಳದಿಂದ ತನಿಖೆ ನಡೆಸಿ ಕೋಟ್ಯಾಂತರ ರೂಪಾಯಿ ಅವ್ಯವಹಾರ ನಡೆಸಿರುವವರ ವಿರುದ್ಧ ಕ್ರಮ ಕೈಗೊಳ್ಳಲಾಗುವುದೇ ? (ವಿವರ ನೀಡುವುದು)